


# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ಗುರುತಿನ ಪ್ರಶ್ನೆ**

ದಿನಾಂಕ : 15-03-2021 ಪ್ರಶ್ನೆ ಸಂಖ್ಯೆ : 174(963)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಸುನೀಲ್ ಸುಬ್ರಮಣಿ ಎಂ. ಪಿ.(ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 15-03-2021

ಉತ್ತರಿಸುವ ಸಚಿವರು: ಅರಣ್ಯ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರು

ವಿಷಯ : ಕೊಡಗು ಜಿಲ್ಲೆಯಲ್ಲಿನ ಹುಲಿ ಮತ್ತು ಆನೆ ದಾಳಿಗಳನ್ನು ತಡೆಯುವ ಬಗ್ಗೆ

(ಅ) ಕೊಡಗು ಜಿಲ್ಲೆಯಲ್ಲಿ ಇತ್ತೀಚಿನ ದಿನಗಳಲ್ಲಿ ಆನೆಗಳು ಮತ್ತು ಹುಲಿಗಳು ಮನುಷ್ಯರ ಮೇಲೆ ದಾಳಿ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಇದರ ನಿಯಂತ್ರಣಕ್ಕೆ ಸರ್ಕಾರ ಕೈಗೊಂಡ ಕ್ರಮಗಳೇನು; (ವಿವರ ನೀಡುವುದು)

(ಆ) ಸದರಿ ಜಿಲ್ಲೆಯಲ್ಲಿ ಹುಲಿ ಮತ್ತು ಆನೆಗಳ ದಾಳಿಯಿಂದ ಕಳೆದ ಎರಡು ವರ್ಷಗಳಲ್ಲಿ ಸಾವನ್ನಪ್ಪಿದ ಮತ್ತು ಗಾಯಗೊಂಡ ಜಾನುವಾರುಗಳ ಮತ್ತು ಮನುಷ್ಯರ ಸಂಖ್ಯೆ ಎಷ್ಟು; (ನೀಡಲಾದ ಪರಿಹಾರದ ವಿವರ ನೀಡುವುದು)

(ಇ) ಕೊಡಗು ಜಿಲ್ಲೆಯಲ್ಲಿ ಇತ್ತೀಚೆಗೆ ಕಂಡು ಬಂದ ಹುಲಿಗಳ ಸಂಖ್ಯೆ ಎಷ್ಟು; ಇವುಗಳನ್ನು ಹಿಡಿಯಲು ಸರ್ಕಾರ ಕೈಗೊಂಡ ಕ್ರಮಗಳೇನು? (ಸಂಪೂರ್ಣ ವಿವರ ನೀಡುವುದು)